ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ತಿ. ನರಸೀಪುರ ಸಾರ್ವಜನಿಕ ಆಸ್ಪತ್ರೆ ಸುತ್ತ ವಿದ್ಯುತ್ ದೀಪದ ವ್ಯವಸ್ಥೆ ಇಲ್ಲದಿರುವ ಕುರಿತು

ಶ್ರೀ ಎಸ್.ನಾಗರಾಜ್ (ಸಂದೇಶ್‌ನಾಗರಾಜ್) (ಸ್ಥಳೀಯಸಂಸ್ಥೆಗಳಕ್ಷೇತ್ರ):-

1502 (1717) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಮೈಸೂರು ಜಿಲ್ಲೆ, ತಿ. ನರಸೀಪುರ ಸಾರ್ವಜನಿಕ ಆಸ್ಪತ್ರೆಯ ಸುತ್ತಮುತ್ತ ವಿದ್ಯುತ್ ದೀಪದ ವ್ಯವಸ್ಥೆಯಿಲ್ಲದೆ, ಸಾರ್ವಜನಿಕರು ಹಾಗೂ ರೋಗಿಗಳು ರಾತ್ರಿ ವೇಳೆಯಲ್ಲಿ ಓಡಾಡಲು ತೊಂದರೆ ಆಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಕೂಡಲೇ ಈ ಆಸ್ಪತ್ರೆಯ ಆವರಣ ಹಾಗೂ ಸುತ್ತಮುತ್ತ ಪ್ರಖರ ವಿದ್ಯುತ್ ದೀಪಗಳ ವ್ಯವಸ್ಥೆ ಮಾಡಲಾಗುವುದೇ ;

(ಆ) ಈ ಆಸ್ಪತ್ರೆಯಲ್ಲಿ ಸ್ವಚ್ಛತೆಯ ಕೊರತೆ ಇರುವುದು, ಪ್ರತಿ ದಿನ ರೋಗಿಗಳ ಹಾಸಿಗೆ ಹೊದಿಕೆಯನ್ನು ಶುಚಿಗೊಳಿಸಿ ಬದಲಾಯಿಸದಿರುವುದು, ಇದರಿಂದ ರೋಗಿಗಳಿಗೆ ಸೋಂಕು ಹಾಗೂ ರೋಗ ಉಲ್ಬಣವಾಗುವ ಪರಿಸ್ಥಿತಿ ನಿರ್ಮಾಣವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸಂಬಂಧಪಟ್ಟವರ ಮೇಲೆ ಕೂಡಲೇ ಕ್ರಮ ಜರುಗಿಸಲಾಗುವುದೇ ?